# ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : **1244**

ಮಾನ್ಯ ಸದಸ್ಯರ ಹೆಸರು : ಶ್ರೀ ಎಸ್.ರವಿ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ)

ಉತ್ತರಿಸಬೇಕಾದ ದಿನಾಂಕ : **15-03-2021**

ಉತ್ತರಿಸುವ ಸಚಿವರು : ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ವೈದ್ಯಕೀಯ ಶಿಕ್ಷಣ ಸಚಿವರು

| ಕ್ರ.ಸಂ. | ಪ್ರಶ್ನೆ | ಉತ್ತರ |
|---|---|---|
| ಅ | ಹೊಸದಾಗಿ ಘೋಷಿಸಲಾದ ತಾಲ್ಲೂಕುಗಳಲ್ಲಿ ತಾಲ್ಲೂಕು ಆಸ್ಪತ್ರೆಗಳನ್ನು ನಿರ್ಮಿಸಲಾಗಿದೆಯೇ: | ಸರ್ಕಾರದ ಪರಿಶೀಲನೆಯಲ್ಲಿದೆ. |
| ಆ | ವ್ಯವಸ್ಥಿತವಾದ ತಾಲ್ಲೂಕು ಆಸ್ಪತ್ರೆಗಳಿಲ್ಲದೆ ಕೊರೋನಾದಂತಹ ಸೋಂಕನ್ನು ನಿಯಂತ್ರಿಸುವಲ್ಲಿ ಸಮಸ್ಯೆಗಳಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ: | ಬಂದಿದೆ. |
| ಇ | ಹೊಸ ತಾಲ್ಲೂಕುಗಳಲ್ಲಿ ತಾಲ್ಲೂಕು ಆಸ್ಪತ್ರೆಗಳನ್ನು ನಿರ್ಮಿಸಲು ಸರ್ಕಾರ ಕೈಗೊಂಡ ಕ್ರಮಗಳೇನು? (ತಾಲ್ಲೂಕುವಾರು ವಿವರಗಳನ್ನು ನೀಡುವುದು) | ಹೊಸದಾಗಿ ರಚಿತವಾದ ತಾಲ್ಲೂಕುಗಳಲ್ಲಿ ಆಸ್ಪತ್ರೆಗಳನ್ನು ಪ್ರಾರಂಭಿಸುವುದಕ್ಕೆ ಹಾಗೂ ಮೇಲ್ದರ್ಜೆಗೇರಿಸುವುದಕ್ಕೆ ಸಂಬಂಧಿಸಿದಂತೆ ಒಂದು ಸಮಗ್ರವಾದ ಯೋಜನೆಯ ಅವಶ್ಯಕತೆಯಿರುತ್ತದೆ. ಪ್ರಸ್ತುತ ಇರುವ ಆರ್ಥಿಕ ಪರಿಸ್ಥಿತಿಯಲ್ಲಿ ಅನುದಾನದ ಕೊರತೆಯಿರುವುದರಿಂದ ಎಲ್ಲಾ ತಾಲ್ಲೂಕು ಆಸ್ಪತ್ರೆಗಳನ್ನು ಒಂದೇ ಬಾರಿಗೆ ಮೇಲ್ದರ್ಜೆಗೇರಿಸಲು ಸಾಧ್ಯವಿರುವುದಿಲ್ಲ. ಅನುದಾನದ ಲಭ್ಯತೆಗನುಗುಣವಾಗಿ ಆಸ್ಪತ್ರೆಗಳನ್ನು ಮೇಲ್ದರ್ಜೆಗೇರಿಸುವ ಪ್ರಸ್ತಾವನೆಗಳನ್ನು ಪರಿಶೀಲಿಸಿ, ಹಂತ ಹಂತವಾಗಿ ಕೈಗೆತ್ತಿಕೊಳ್ಳಲು ಕ್ರಮ ಕೈಗೊಳ್ಳಲಾಗುವುದು. |

**ಆಕುಕ 37 ಎಸ್‌ಬಿವಿ 2021**

(ಡಾ॥ ಕೆ. ಸುಧಾಕರ್)
ಆರೋಗ್ಯ ಮತ್ತು ಕುಟುಂಬ ಕಲ್ಯಾಣ
ಹಾಗೂ ವೈದ್ಯಕೀಯ ಶಿಕ್ಷಣ ಸಚಿವರು